

# ಕರ್ನಾಟಕ ವಿಧಾನ ಪರಿಷತ್ತು

ನೂರ ನಲವತ್ತ ಮೂರನೆಯ ಅಧಿವೇಶನದ ಮುಂದುವರೆದ ಉಪವೇಶನ

**ಚುಕ್ಕೆ ರಹಿತ ಪ್ರಶ್ನೆ**

ದಿನಾಂಕ : 17-03-2021 ಪ್ರಶ್ನೆ ಸಂಖ್ಯೆ : 1187 (1454)

ಸದಸ್ಯರ ಹೆಸರು ಮತ್ತು ಕ್ಷೇತ್ರ : ಶ್ರೀ ಗೋವಿಂದ ರಾಜು (ವಿಧಾನಸಭೆಯಿಂದ ಚುನಾಯಿತರಾದವರು)

ಉತ್ತರ ನೀಡಬೇಕಾದ ದಿನಾಂಕ : 17-03-2021

ಉತ್ತರಿಸುವ ಸಚಿವರು : ಸಮಾಜ ಕಲ್ಯಾಣ ಸಚಿವರು

ವಿಷಯ : ಅನುದಾನ ಬಿಡುಗಡೆ ಮಾಡದಿರುವ ಬಗ್ಗೆ

(ಅ) 2018-19ನೇ ಸಾಲಿನಲ್ಲಿ ಕಾಲೋನಿ ಅಭಿವೃದ್ಧಿ/ಪ್ರಗತಿ ಕಾಲೋನಿ ಯೋಜನೆಯಡಿಯಲ್ಲಿ ಕಲಬುರಗಿ ಜಿಲ್ಲೆಯ ನಗರ ಪ್ರದೇಶಗಳಲ್ಲಿ ಪರಿಶಿಷ್ಟ ಪಂಗಡದ ಜನರು ಹೆಚ್ಚಿನ ಸಂಖ್ಯೆಯಲ್ಲಿ ವಾಸಿಸುತ್ತಿರುವ ಕಾಲೋನಿಗಳಿಗೆ ಮೂಲಭೂತ ಸೌಕರ್ಯಗಳನ್ನು ಒದಗಿಸಲು ಸರ್ಕಾರ ಅನುದಾನವನ್ನು ಬಿಡುಗಡೆ ಮಾಡಿದೆಯೇ;

(ಆ) ಹಾಗಿದ್ದಲ್ಲಿ, ಈ ಯೋಜನೆಗೆ ಸರ್ಕಾರ ನಿಗದಿಪಡಿಸಿದ್ದ ಮೊತ್ತವೆಷ್ಟು ಮತ್ತು ಕಾಮಗಾರಿ ಕೈಗೆತ್ತಿಕೊಳ್ಳಲು ಬಿಡುಗಡೆ ಮಾಡಿರುವ ಮೊತ್ತವೆಷ್ಟು; (ಸಂಪೂರ್ಣ ಮಾಹಿತಿ ನೀಡುವುದು)

(ಇ) ಸರ್ಕಾರದ ಆದೇಶ ಸಂಖ್ಯೆ:ಸಕಇ:77:ಎಸ್‌ಎಲ್‌ಪಿ:2019, ದಿನಾಂಕ: 22-02-2019, ದಿನಾಂಕ: 22-02-2019ರ ಆದೇಶ ಸಂಖ್ಯೆ:ಪವಕನಿ:ಪಪಂಉಯೋ:ಸಿಆರ್01/2018 -19 ದಿನಾಂಕ:05-11-2020ರ ಆದೇಶದಂತೆ ಮೇಲ್ಕಂಡ ಕಾಲೋನಿಗಳಲ್ಲಿ ಕಾಮಗಾರಿಗಳನ್ನು ಕೈಗೆತ್ತಿಕೊಳ್ಳಲು ಶೇ.75ರಷ್ಟು ಅನುದಾನವನ್ನು ಜಿಲ್ಲಾಧಿಕಾರಿಗಳು ಹಾಗೂ ಜಂಟಿ ನಿರ್ದೇಶಕರು ಸಮಾಜ ಕಲ್ಯಾಣ ಇಲಾಖೆ ಕಲಬುರಗಿ ಜಿಲ್ಲೆ, ಇವರ ಜಂಟಿ ಖಾತೆಗೆ ಖಜಾನೆ-2ರ ಮೂಲಕ ಪಾವತಿ ಮಾಡಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ ;

(ಈ) ಹಾಗಿದ್ದಲ್ಲಿ, ಇದುವರೆವಿಗೂ ಕಾಮಗಾರಿಗಳನ್ನು ಕೈಗೆತ್ತಿಕೊಳ್ಳದಿರಲು ಕಾರಣಗಳೇನು ;

(ಉ) ಆದೇಶ ಸಂಖ್ಯೆ:ಪವಕನಿ:ಪಪಂಉಯೋ:ಸಿಆರ್01/2020-21 ದಿ:05-02-2021ರಂದು ಪರಿಶಿಷ್ಟ ವರ್ಗಗಳ ಕಲ್ಯಾಣ ನಿರ್ದೇಶನಾಲಯದ ನಿರ್ದೇಶಕರು, ಕಲಬುರಗಿ ಜಿಲ್ಲೆಯ ಸಮಾಜ ಕಲ್ಯಾಣ ಇಲಾಖೆ ಜಂಟಿ ನಿರ್ದೇಶಕರಿಗೆ ಪತ್ರ ಬರೆದು ಮೊದಲನೇ ಕಂತಿನಲ್ಲಿ ಬಿಡುಗಡೆಯಾಗಿ ರುವ ಅನುದಾನಕ್ಕೆ ಸರ್ಕಾರ ಆದೇಶದನ್ವಯ ಕಾಮಗಾರಿಗಳನ್ನು ಕೈಗೆತ್ತಿಕೊಳ್ಳಲು ಪ್ರಸ್ತಾವನೆಯನ್ನು ಸಲ್ಲಿಸುವಂತೆ ಸೂಚಿಸಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ;

(ಊ) ಸರ್ಕಾರದ ಆದೇಶಗಳು ಮತ್ತು ಪರಿಶಿಷ್ಟ ವರ್ಗಗಳ ಕಲ್ಯಾಣ ನಿರ್ದೇಶನಾಲಯದ ನಿರ್ದೇಶಕರ ಆದೇಶಗಳನ್ನು ಧಿಕ್ಕರಿಸಿರುವ ಕಲಬುರಗಿ ಜಿಲ್ಲೆಯ ಸಮಾಜ ಕಲ್ಯಾಣ ಇಲಾಖೆ ಜಂಟಿ ನಿರ್ದೇಶಕರ ಮೇಲೆ ಸರ್ಕಾರ ಯಾವುದೇ ಕ್ರಮಕೈಗೊಳ್ಳದಿರಲು ಕಾರಣಗಳೇನು ;

(ಋ) ಸರ್ಕಾರ ಈಗಲಾದರೂ ಮೇಲ್ಕಂಡ ಕಾಲೋನಿಗಳಲ್ಲಿ ಮೂಲಭೂತ ಸೌಲಭ್ಯಗಳ ಕಾಮಗಾರಿಗಳನ್ನು ಕೈಗೆತ್ತಿಕೊಳ್ಳಲಾಗುವುದೇ ಮತ್ತು ತಪ್ಪಿತಸ್ಥ ಅಧಿಕಾರಿಗಳ ಮೇಲೆ ಕೂಡಲೇ ಶಿಸ್ತು ಕ್ರಮ ಜರುಗಿಸಲು ಸರ್ಕಾರ ಕ್ರಮಕೈಗೊಳ್ಳುವುದೇ ;

(ಎ) ಹಾಗಿದ್ದಲ್ಲಿ, ಯಾವ ಕಾಲಮಿತಿಯೊಳಗಾಗಿ ಕಾಮಗಾರಿಗಳನ್ನು ಕೈಗೆತ್ತಿಕೊಳ್ಳಲಾಗುವುದು ಮತ್ತು ತಪ್ಪಿತಸ್ಥ ಅಧಿಕಾರಿಗಳ ಮೇಲೆ ಕ್ರಮಕೈಗೊಳ್ಳಲಾಗುವುದೇ ? ( ವಿವರಗಳನ್ನು ನೀಡುವುದು)